ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಸರ್ಕಾರಿ ವೈದ್ಯರುಗಳ ಅಸಮರ್ಪಕ ಕಾರ್ಯನಿರ್ವಹಣೆ

ಶ್ರೀ ಆರ್. ಧರ್ಮಸೇನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

07 (89) ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ಕೆಲವು ವೈದ್ಯರುಗಳು ಖಾಸಗಿಯಾಗಿ ಕ್ಲಿನಿಕ್‌ಗಳನ್ನು ತೆರೆದು ಸರ್ಕಾರಿ ಆಸ್ಪತ್ರೆಗೆ ಹೋಗುವ ರೋಗಿಗಳಿಗೆ ಅಲ್ಲಿ ಚಿಕಿತ್ಸೆ ಕೊಡದೆ ಖಾಸಗಿ ಕ್ಲಿನಿಕ್‌ಗೆ ಬರುವಂತೆ ಒತ್ತಾಯಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದರೆ, ಸರ್ಕಾರ ಏನು ಕ್ರಮ ಕೈಗೊಂಡಿದೆ;

(ಆ) ಸರ್ಕಾರಿ ವೈದ್ಯರು ಆಸ್ಪತ್ರೆಯಲ್ಲಿ ಔಷಧಿಗಳನ್ನು ಕೊಡದೆ ತಾವು ಹೇಳಿದ ಔಷಧಿ ಅಂಗಡಿಗಳಲ್ಲೇ ಔಷಧಿ ತೆಗೆದುಕೊಳ್ಳುವಂತೆ ಒತ್ತಾಯಿಸಿ ಅಂಗಡಿಯವರಿಂದ ಕಮಿಷನ್ ತೆಗೆದುಕೊಳ್ಳುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಸರ್ಕಾರ ಈ ಬಗ್ಗೆ ಕ್ರಮ ಕೈಗೊಂಡಿದೆಯೇ;

(ಇ) ಸರ್ಕಾರದಿಂದ ಸಮರ್ಪಕವಾಗಿ ಔಷಧಿ ಮತ್ತು ವೈದ್ಯಕೀಯ ಸಲಕರಣೆಗಳು ಸರಬರಾಜಾಗುತ್ತಿಲ್ಲವೆಂದು ಕಾರಣ ಹೇಳುತ್ತಿರುವವರ ವಿರುದ್ಧ ಏನು ಕ್ರಮ ಕೈಗೊಳ್ಳಲಾಗುವುದು?